ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 03 ನೇ ಮಾರ್ಚ್, 2020

ಅನ್ನಭಾಗ್ಯ ಯೋಜನೆಯಲ್ಲಿ ದುರುಪಯೋಗವಾಗುತ್ತಿರುವ ಬಗ್ಗೆ

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು):-

132 (181) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಬಡವರ ಹಸಿವು ನೀಗಿಸಲು ಅನ್ನಭಾಗ್ಯ ಯೋಜನೆಯಡಿ ಸರ್ಕಾರ ವಿತರಿಸುತ್ತಿರುವ ಅಪಾರ ಪ್ರಮಾಣದ ಅಕ್ಕಿ ಮಧ್ಯವರ್ತಿಗಳ ಪಾಲಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಹಾಗಿದ್ದಲ್ಲಿ, ಈ ಅನ್ನಭಾಗ್ಯ ಯೋಜನೆಯಡಿ ಬಿ.ಪಿ.ಎಲ್-ಎ.ಪಿ.ಎಲ್ ಹಾಗೂ ಅಂತ್ಯೋದಯ ಕಾರ್ಡುದಾರರಿಗೆ ವಿತರಿಸುವ ಅಕ್ಕಿಯಲ್ಲಿ ಸಾವಿರಾರು ಟನ್‌ಗಟ್ಟಲೆ ಉಳಿಕೆಯಾಗುತ್ತಿದ್ದು ಕೆಲ ಅಧಿಕಾರಿ/ನೌಕರರು ಹಾಗೂ ನ್ಯಾಯಬೆಲೆ ಅಂಗಡಿ ಮಾಲೀಕರು ಸರ್ಕಾರಕ್ಕೆ ತಪ್ಪು ಲೆಕ್ಕ ತೋರಿಸಿ ಈ ಅಕ್ಕಿಯನ್ನು ಕಬಳಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಈ ಅಕ್ರಮವನ್ನು ತಪ್ಪಿಸಲು ಹಾಗೂ ಬಡವರಿಗೆ ಈ ಯೋಜನೆಯನ್ನು ಸಂಪೂರ್ಣವಾಗಿ ತಲುಪುವಂತೆ ಮಾಡಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಈ) ಸುಳ್ಳು ಲೆಕ್ಕ ತೋರಿಸಿ ಕಾಳಸಂತೆಯಲ್ಲಿ ಅನ್ನಭಾಗ್ಯ ಅಕ್ಕಿಯನ್ನು ಮಾರಾಟ ಮಾಡುವ ಅಧಿಕಾರಿ/ಅಂಗಡಿ ಮಾಲೀಕರು ಹಾಗೂ ಮಧ್ಯವರ್ತಿಗಳ ವಿರುದ್ಧ ಸರ್ಕಾರ ಯಾವ ಕ್ರಮ ಕೈಗೊಳ್ಳುವುದು? (ಸ್ಪಷ್ಟ ಮಾಹಿತಿ ಒದಗಿಸುವುದು)